## ಕರ್ನಾಟಕ ವಿಧಾನ ಪರಿಷತ್ತು

| | | |
|---|---|---|
| **ಚುಕ್ಕೆ ಗುರುತಿಲ್ಲದ ಪ್ರಶ್ನೆ ಸಂಖ್ಯೆ** | | **19 (81)** |
| **ಸದಸ್ಯರ ಹೆಸರು** | | **ಡಾ: ಚಂದ್ರಶೇಖರ ಬಿ. ಪಾಟೀಲ್** |
| **ಉತ್ತರಿಸಬೇಕಾದ ದಿನಾಂಕ** | | **07-12-2020** |
| **ಉತ್ತರಿಸಬೇಕಾದ ಸಚಿವರು** | | **ಉಪ ಮುಖ್ಯಮಂತ್ರಿಗಳು (ಉನ್ನತ ಶಿಕ್ಷಣ)** |
| **ಪ್ರಶ್ನೆ** | | **ಉತ್ತರ** |
| ಅ) | ಖಾಸಗಿ ಅನುದಾನಿತ ಪದವಿ ಕಾಲೇಜುಗಳಲ್ಲಿ ನಿವೃತ್ತಿ, ರಾಜೀನಾಮೆ, ನಿಧನ ಮುಂತಾದ ಕಾರಣಗಳಿಂದ ಖಾಲಿ ಇರುವ ಬೋಧಕೇತರ ಹುದ್ದೆಗಳ ನೇಮಕಾತಿಗೆ ಅನುಮತಿ ನೀಡದಿರಲು ಕಾರಣವೇನು? | ಸರ್ಕಾರದ ಅಧಿಸೂಚನೆ ಸಂಖ್ಯೆ:ಇಡಿ/551/ಯುಪಿಸಿ/99, ದಿ:07.08.2003 ರಲ್ಲಿ ಹೊರಡಿಸಿರುವ ಕರ್ನಾಟಕ ಶಿಕ್ಷಣ ಸಂಸ್ಥೆಗಳು (ಕಾಲೇಜು ಶಿಕ್ಷಣ) ನಿಯಮಗಳು-2003ರ ನಿಯಮ 8(2) ರನ್ವಯ ಖಾಸಗಿ ಅನುದಾನಿತ ಪದವಿ ಕಾಲೇಜುಗಳಲ್ಲಿ ದಿ:01.03.2001 ರಂದು ಹಾಗೂ ನಂತರ ನಿವೃತ್ತಿ, ನಿಧನ, ರಾಜೀನಾಮೆ ಹಾಗೂ ಇನ್ನಿತರೆ ಕಾರಣಗಳಿಂದ ತೆರವಾಗುವ ಎಲ್ಲಾ ಬೋಧಕೇತರ ಹುದ್ದೆಗಳು ಶಾಶ್ವತ ಅನುದಾನರಹಿತ ಹುದ್ದೆಗಳೆಂದು ಪರಿಗಣಿಸಲ್ಪಟ್ಟಿರುತ್ತವೆ.<br><br>ಆದ್ದರಿಂದ ಖಾಸಗಿ ಅನುದಾನಿತ ಪದವಿ ಕಾಲೇಜುಗಳಲ್ಲಿ ಬೋಧಕೇತರ ಖಾಲಿ ಹುದ್ದೆಗಳನ್ನು ಭರ್ತಿ ಮಾಡಲು ಪ್ರಸ್ತುತ ಅವಕಾಶವಿರುವುದಿಲ್ಲ.<br><br>ಸರ್ಕಾರದ ಸುತ್ತೋಲೆ ಸಂಖ್ಯೆ: ಆಇ/01/ಬಿಇಎಂ/2012, ದಿ:14.06.2012ರ ಪ್ರಕಾರ ಖಾಸಗಿ ಅನುದಾನಿತ ಪ್ರಥಮ ದರ್ಜೆ ಕಾಲೇಜುಗಳಲ್ಲಿ ಖಾಲಿ ಇರುವ ಬೋಧಕೇತರ ಬ್ಯಾಕ್‌ಲಾಗ್ ಹುದ್ದೆಗಳನ್ನು ಭರ್ತಿ ಮಾಡಲು ಅವಕಾಶವಿದ್ದು, ಅದರಂತೆ ಇಲಾಖಾ ವತಿಯಿಂದ ಅಗತ್ಯ ಕ್ರಮ ಕೈಗೊಳ್ಳಲಾಗುತ್ತಿತ್ತು. ಆದರೆ ಆರ್ಥಿಕ ಇಲಾಖೆಯ ಸುತ್ತೋಲೆ ಸಂಖ್ಯೆ:ಆಇ/03/ ಬಿಇಎಂ/2020, ದಿ:06.07.2020 ರನ್ವಯ "ಕೋವಿಡ್-19 ರಿಂದ ಉಂಟಾದ ಪರಿಸ್ಥಿತಿಯನ್ನು ನಿಭಾಯಿಸಿ ಆರ್ಥಿಕ ಸುಸ್ಥಿತಿಗೆ ತರುವ ನಿಟ್ಟಿನಲ್ಲಿ 2020-21ನೇ ಸಾಲಿನ ಆರ್ಥಿಕ ವರ್ಷದಲ್ಲಿ ಕಲ್ಯಾಣ ಕರ್ನಾಟಕ ವೃಂದದ ಹುದ್ದೆಗಳು ಮತ್ತು ಬ್ಯಾಕ್‌ಲಾಗ್ ಹುದ್ದೆಗಳೂ ಸೇರಿದಂತೆ ಎಲ್ಲಾ ನೇರ ನೇಮಕಾತಿ ಹುದ್ದೆಗಳನ್ನು ಭರ್ತಿ ಮಾಡುವುದನ್ನು ಮುಂದಿನ ಆದೇಶದವರೆಗೆ ತಡೆಹಿಡಿಯಲಾಗಿದೆ. ಈಗಾಗಲೇ ಆರ್ಥಿಕ ಇಲಾಖೆಯ ಅನುಮತಿ ಪಡೆದು ನೇಮಕಾತಿಯ ವಿವಿಧ ಹಂತಗಳಲ್ಲಿರುವ ಹುದ್ದೆಗಳಿಗೂ ಸಹ ಈ ಆದೇಶ ಅನ್ವಯವಾಗುತ್ತದೆ ಎಂದು ತಿಳಿಸಲಾಗಿದೆ. ಈ ಹಿನ್ನೆಲೆಯಲ್ಲಿ ಬೋಧಕೇತರ ಬ್ಯಾಕ್‌ಲಾಗ್ ಹುದ್ದೆಗಳನ್ನು ಭರ್ತಿ ಮಾಡಲು ಪ್ರಸ್ತುತ ಅವಕಾಶವಿರುವುದಿಲ್ಲ. |
| ಆ) | ಖಾಸಗಿ ಅನುದಾನಿತ ಪದವಿ ಕಾಲೇಜುಗಳಲ್ಲಿ ನಿವೃತ್ತಿ, ರಾಜೀನಾಮೆ, ನಿಧನ ಮುಂತಾದ ಕಾರಣಗಳಿಂದ ಖಾಲಿ ಇರುವ ಬೋಧಕ | ಸರ್ಕಾರದ ಆದೇಶ ಸಂಖ್ಯೆ:ಡಿಪಿಎಆರ್/5/ಎಸ್‌ಬಿಸಿ/84 ದಿನಾಂಕ:28.01.1987 ರಲ್ಲಿ "ಕಾಲೇಜು ಶಿಕ್ಷಣ ಇಲಾಖೆಯ ವ್ಯಾಪ್ತಿಯಲ್ಲಿನ ಕಾಲೇಜುಗಳ ಉಪನ್ಯಾಸಕರ ಹುದ್ದೆಗಳಿಗೆ ನೇರ ನೇಮಕಾತಿ ಮಾಡುವುದಕ್ಕೆ ಮೀಸಲಾತಿ ವರದಿ ಪಟ್ಟಿ (ರೋಸ್ಟರ್) ಪ್ರಕಾರ ಸ್ಥಾನಗಳನ್ನು ಮೀಸಲಿರಿಸುವಾಗ |

| | | |
|---|---|---|
| | ಹುದ್ದೆಗಳ ನೇಮಕಾತಿಗೆ ಅನುಮತಿ ನೀಡುವಾಗ ಕಾಲೇಜನ್ನು ಒಂದು ಘಟಕವನ್ನಾಗಿ ಪರಿಗಣಿಸದೆ ವಿಷಯ/ವಿಭಾಗವನ್ನು ಒಂದು ಘಟಕವನ್ನಾಗಿ ಪರಿಗಣಿಸಿ ಮೀಸಲಾತಿಯನ್ನು ನಿಗಧಿಪಡಿಸುವುದರಿಂದ ಸಾಮಾಜಿಕ ಅನ್ಯಾಯ ಆಗುತ್ತಿಲ್ಲವೆ; | ಪ್ರತಿಯೊಂದು ವಿಷಯದಲ್ಲೂ ಪ್ರತ್ಯೇಕವಾಗಿ ರೋಸ್ಟರ್ ಅನುಸರಿಸಿ ಹುದ್ದೆಗಳ ಮೀಸಲಾತಿಯನ್ನು ವಿಷಯವಾರು ಮಾಡುವಂತೆ **(subject-wise reservation)"** ಸರ್ಕಾರವು ಆದೇಶಿಸಿದೆ. ಆದ್ದರಿಂದ, ಖಾಸಗಿ ಅನುದಾನಿತ ಪದವಿ ಕಾಲೇಜುಗಳಲ್ಲಿ ವಿವಿಧ ಕಾರಣಗಳಿಂದ ತೆರವಾದ ಬೋಧಕರ ಹುದ್ದೆಗಳ ನೇಮಕಾತಿಗೆ ಅನುಮತಿ ನೀಡುವಾಗ ವಿಷಯವಾರು ಮೀಸಲಾತಿಯನ್ನು ಅನುಸರಿಸಲಾಗುತ್ತಿದೆ. |
| ಇ) | ಸರ್ಕಾರಿ ಹಾಗೂ ಅನುದಾನಿತ ಪದವಿ ಕಾಲೇಜುಗಳಲ್ಲಿ ಪೂರ್ಣಾವಧಿ ಪ್ರಾಂಶುಪಾಲರ ನೇಮಕಾತಿ ಮಾಡಲಾಗುವುದು ಯಾವಾಗ; | ಸರ್ಕಾರಿ ಪ್ರಥಮ ದರ್ಜೆ ಕಾಲೇಜುಗಳಲ್ಲಿನ ಪ್ರಾಂಶುಪಾಲರ ಹುದ್ದೆಗಳನ್ನು ಯು.ಜಿ.ಸಿ ಮಾನದಂಡಗಳನ್ವಯ ನೇರ ನೇಮಕಾತಿ ಮೂಲಕ ಭರ್ತಿ ಮಾಡಲು ಇಲಾಖೆಯ ವೃಂದ ಮತ್ತು ನೇಮಕಾತಿ ನಿಯಮಗಳಲ್ಲಿ ಆದೇಶಿಸಲಾಗಿದೆ. ಅದರಂತೆ, ಆರ್ಥಿಕ ಇಲಾಖೆಯು ಸಹಮತಿ ನೀಡಿರುವ ಒಟ್ಟು-310 ಪ್ರಾಂಶುಪಾಲರ ಹುದ್ದೆಗಳನ್ನು ನೇರ ನೇಮಕಾತಿ ಮೂಲಕ ಭರ್ತಿ ಮಾಡುವ ಸಂಬಂಧ ಸರ್ಕಾರದ ಅಧಿಸೂಚನೆ ಸಂಖ್ಯೆ: ಇಡಿ/121/ಡಿಸಿಇ/2018, ದಿನಾಂಕ:09.09.2020 ರಲ್ಲಿ ಅಂತಿಮ ನಿಯಮಗಳನ್ನು ಹೊರಡಿಸಲಾಗಿದೆ.<br><br>ಪ್ರಸ್ತುತ ಕೋವಿಡ್-19 ಹಿನ್ನೆಲೆಯಲ್ಲಿ 2020-21ನೇ ಸಾಲಿನಲ್ಲಿ ಯಾವುದೇ ನೇರ ನೇಮಕಾತಿಯನ್ನು ಕೈಗೊಳ್ಳುವಂತಿಲ್ಲ ಎಂಬುದಾಗಿ ಆರ್ಥಿಕ ಇಲಾಖೆಯ ಸುತ್ತೋಲೆ ಸಂಖ್ಯೆ:ಆಇ/ 03/ಬಿಇಎಂ/2020, ದಿನಾಂಕ:06.07.2020 ರಲ್ಲಿ ಸೂಚಿಸಲಾಗಿರುತ್ತದೆ.<br><br>ಆದ್ದರಿಂದ ಈ ಮೇಲಿನಂತೆ ಆರ್ಥಿಕ ಇಲಾಖೆಯು ವಿಧಿಸಿರುವ ನಿರ್ಬಂಧವನ್ನು ತೆರವುಗೊಳಿಸಿದ ನಂತರ ಸರ್ಕಾರಿ ಕಾಲೇಜುಗಳಲ್ಲಿನ ಪ್ರಾಂಶುಪಾಲರ ಹುದ್ದೆಗಳನ್ನು ಭರ್ತಿ ಮಾಡಲು ನಿಯಮಾನುಸಾರ ಕ್ರಮ ವಹಿಸಲಾಗುವುದು.<br><br>ಖಾಸಗಿ ಅನುದಾನಿತ ಪದವಿ ಕಾಲೇಜುಗಳಲ್ಲಿನ ಪ್ರಾಂಶುಪಾಲರ ಹುದ್ದೆಗಳು ಮಂಜೂರಾಗಿರುವುದಿಲ್ಲ. ಪ್ರಸ್ತುತ ಚಾಲ್ತಿಯಲ್ಲಿರುವ ಯು.ಜಿ.ಸಿ. ನಿಯಮಗಳನ್ವಯ ಪ್ರಾಂಶುಪಾಲರ ಹುದ್ದೆಗಳನ್ನು ನೇರ ನೇಮಕಾತಿಯಿಂದ ಭರ್ತಿ ಮಾಡಬೇಕಾಗಿದ್ದರಿಂದ ಈ ಕಾಲೇಜುಗಳಿಗೆ ಪ್ರಾಂಶುಪಾಲರ ಹುದ್ದೆಯನ್ನು ಸೃಜನೆ ಮಾಡುವಂತೆ ಕೋರಿ ಆಯುಕ್ತರಿಂದ ಸರ್ಕಾರಕ್ಕೆ ಪ್ರಸ್ತಾವನೆ ಸಲ್ಲಿಸಲಾಗಿತ್ತು.<br><br>ಇದಕ್ಕೆ ಸಂಬಂಧಿಸಿದಂತೆ ಸರ್ಕಾರದ ಪತ್ರ ಸಂಖ್ಯೆ:ಇಡಿ/ 193/ಯುಪಿಸಿ/2020 ದಿನಾಂಕ:23.06.2020 ರ ಪತ್ರದಲ್ಲಿ "ಸರ್ಕಾರದ ಸುತ್ತೋಲೆ ಸಂಖ್ಯೆ:ಆಇ/157/ವೆಚ್ಚ-8/2020 ದಿ:10.06.2020 ರಂತೆ ಅನುದಾನಿತ ಸಂಸ್ಥೆಗಳಲ್ಲಿ ಖಾಲಿ ಉಂಟಾಗುವ ಹುದ್ದೆಗಳನ್ನು ಭರ್ತಿ ಮಾಡಿಕೊಳ್ಳಲು |

| | | |
|---|---|---|
| | | ಹೊಸದಾಗಿ ಸಹಮತಿ ನೀಡಿರುವುದಿಲ್ಲವಾದ್ದರಿಂದ ಸದರಿ ಪ್ರಸ್ತಾವನೆಯನ್ನು 2020-21 ನೇ ಸಾಲಿನಲ್ಲಿ ಪರಿಗಣಿಸಲು ಸಾಧ್ಯವಿರುವುದಿಲ್ಲ" ಎಂಬುದಾಗಿ ನಿರ್ದೇಶಿಸಲಾಗಿದೆ. |
| ಈ) | ರಾಜ್ಯದ ಅನುದಾನಿತ ಪದವಿ ಕಾಲೇಜುಗಳಲ್ಲಿ ಸೇವೆ ಸಲ್ಲಿಸುವ ಸಂದರ್ಭದಲ್ಲಿ ನಿಧನರಾದ ಸಿಬ್ಬಂದಿಗಳ ಅವಲಂಬಿತರಿಗೆ/ ಕುಟುಂಬಸ್ಥರಿಗೆ ಅನುಕಂಪದ ಆಧಾರದ ಮೇಲೆ ನೀಡುವ ಸೇವಾ ಸೌಲಭ್ಯ ಸ್ಥಗಿತಗೊಳಿಸಿರುವುದರಿಂದ ಅಂತಹ ಕುಟುಂಬಗಳು ತೊಂದರೆಗೊಳಗಾಗುತ್ತಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ, ಹಾಗಿದ್ದಲ್ಲಿ ಈ ಬಗ್ಗೆ ಸರ್ಕಾರ ಕೈಗೊಂಡ ಕ್ರಮವೇನು? | ಬಂದಿದೆ.<br><br>"ಕರ್ನಾಟಕ ಶೈಕ್ಷಣಿಕ ಸಂಸ್ಥೆಗಳ (ಕಾಲೇಜು ಶಿಕ್ಷಣ) ನಿಯಮಗಳು, 2003ರ ನಿಯಮ 8(2)ರಲ್ಲಿ ತಿಳಿಸಿರುವಂತೆ ಖಾಸಗಿ ಅನುದಾನಿತ ಪದವಿ ಕಾಲೇಜುಗಳಲ್ಲಿ ದಿ:01.03.2001ರ ನಂತರ ತೆರವಾಗುವ ಬೋಧಕೇತರರ ಹುದ್ದೆಗಳು ಶಾಶ್ವತವಾಗಿ ಅನುದಾನರಹಿತವೆಂದು ಪರಿಗಣಿಸಲ್ಪಡುವುದರಿಂದ ಅನುದಾನಿತ ಪದವಿ ಕಾಲೇಜುಗಳಲ್ಲಿ ಅನುಕಂಪದ ಆಧಾರದ ಮೇಲೆ ನೇಮಕಾತಿ ಮಾಡಿಕೊಳ್ಳಲು ಅವಕಾಶವಿರುವುದಿಲ್ಲ.<br><br>ಆರ್ಥಿಕ ಇಲಾಖೆಯ ಸುತ್ತೋಲೆ ಸಂಖ್ಯೆ:ಆಇ/03/ ಬಿಇಎಂ/2020, ದಿ:06.07.2020 ರನ್ವಯ "ಕೋವಿಡ್-19 ರಿಂದ ಉಂಟಾದ ಪರಿಸ್ಥಿತಿಯನ್ನು ನಿಭಾಯಿಸಿ ಆರ್ಥಿಕ ಸುಸ್ಥಿತಿಗೆ ತರುವ ನಿಟ್ಟಿನಲ್ಲಿ 2020-21ನೇ ಸಾಲಿನ ಆರ್ಥಿಕ ವರ್ಷದಲ್ಲಿ ಕಲ್ಯಾಣ ಕರ್ನಾಟಕ ವೃಂದದ ಹುದ್ದೆಗಳು ಮತ್ತು ಬ್ಯಾಕ್‌ಲಾಗ್ ಹುದ್ದೆಗಳೂ ಸೇರಿದಂತೆ ಎಲ್ಲಾ ನೇರ ನೇಮಕಾತಿ ಹುದ್ದೆಗಳನ್ನು ಭರ್ತಿ ಮಾಡುವುದನ್ನು ಮುಂದಿನ ಆದೇಶದವರೆಗೆ ತಡೆಹಿಡಿಯಲಾಗಿದೆ. . .ಈಗಾಗಲೇ ಆರ್ಥಿಕ ಇಲಾಖೆಯ ಅನುಮತಿ ಪಡೆದು ನೇಮಕಾತಿಯ ವಿವಿಧ ಹಂತಗಳಲ್ಲಿರುವ ಹುದ್ದೆಗಳಿಗೂ ಸಹ ಈ ಆದೇಶ ಅನ್ವಯವಾಗುತ್ತದೆ ಎಂದು ತಿಳಿಸಲಾಗಿದೆ. ಆದ್ದರಿಂದ, ಪ್ರಸ್ತುತ ಖಾಸಗಿ ಅನುದಾನಿತ ಪದವಿ ಕಾಲೇಜುಗಳಲ್ಲಿ ಅನುಕಂಪದ ಆಧಾರದ ನೇಮಕಾತಿಗೆ ಅವಕಾಶವಿರುವುದಿಲ್ಲ. |

ಇಡಿ 158 ಯುಪಿಸಿ 2020

(ಡಾ: ಅಶ್ವಥ್ ನಾರಾಯಣ ಸಿ.ಎನ್.)
ಉಪ ಮುಖ್ಯಮಂತ್ರಿಗಳು (ಉನ್ನತ ಶಿಕ್ಷಣ)